ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ರಾಜ್ಯದ ಗ್ರಾಮೀಣ ಭಾಗಗಳಲ್ಲಿ ಮಾಹಿತಿ ತಂತ್ರಜ್ಞಾನ ಸಂಸ್ಥೆಗಳನ್ನು ತೆರೆಯುವ ಬಗ್ಗೆ

ಶ್ರೀ ಎಂ. ಎ. ಗೋಪಾಲಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

27 (79) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ, ತಂತ್ರಜ್ಞಾನ ಮತ್ತು ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ರಾಜ್ಯದಲ್ಲಿ ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ ಆಧಾರಿತ ಎಷ್ಟು ಸಂಸ್ಥೆಗಳಿವೆ; (ವಿವರ ನೀಡುವುದು) ಈ ಸಂಸ್ಥೆಗಳಲ್ಲಿ ಸರೋಜಿನಿ ಮಹಿಷಿ ವರದಿಯಂತೆ ಸ್ಥಳೀಯರಿಗೆ ಉದ್ಯೋಗಾವಕಾಶಗಳನ್ನು ನೀಡಲಾಗುತ್ತಿದೆಯೇ; ಇಲ್ಲದಿದ್ದಲ್ಲಿ, ಸರ್ಕಾರವು ಈ ಸಂಬಂಧ ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಆ) ಬೆಂಗಳೂರು ನಗರ ಹೊರತುಪಡಿಸಿ ರಾಜ್ಯದ ಇತರೆ ಜಿಲ್ಲೆಗಳಲ್ಲಿ ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ ಕೇಂದ್ರಗಳನ್ನು ಸ್ಥಾಪನೆ ಮಾಡಲು ಸರ್ಕಾರ ಉದ್ದೇಶಿಸಿದೆಯೇ; ಉದ್ದೇಶಿಸಿದ್ದಲ್ಲಿ; ಯಾವ ಯಾವ ಪ್ರದೇಶಗಳಲ್ಲಿ ಈ ಕೇಂದ್ರಗಳನ್ನು ತೆರೆಯಲಾಗುವುದು; (ವಿವರ ನೀಡುವುದು)

(ಇ) ಬೆಂಗಳೂರು ನಗರ ಹೊರತುಪಡಿಸಿ ರಾಜ್ಯದ ಇತರೆ ಭಾಗಗಳಲ್ಲಿ ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ ಕೇಂದ್ರಗಳನ್ನು ಸ್ಥಾಪನೆ ಮಾಡಲು ಖಾಸಗಿ ಕಂಪನಿಗಳಿಗೆ ಸರ್ಕಾರ ಒದಗಿಸುತ್ತಿರುವ ಸವಲತ್ತುಗಳೇನು? (ವಿವರ ನೀಡುವುದು)